ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಬುಧವಾರ, ದಿನಾಂಕ : 04 ನೇ ಮಾರ್ಚ್, 2020

ಸರ್ಕಾರಿ ಜಾಗ ಒತ್ತುವರಿ ಕುರಿತು

ಶ್ರೀ ಎನ್. ರವಿಕುಮಾರ್ (ವಿಧಾನಸಭೆಯಿಂದ ಚುನಾಯಿತರಾದವರು):-

255 (249) ಮಾನ್ಯ ಕಂದಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಬೆಂಗಳೂರು ದಕ್ಷಿಣ ತಾಲ್ಲೂಕಿನ ಬೇಗೂರು ಹೋಬಳಿಯ ಹುಳಿಮಾವು ಗ್ರಾಮದ ಸರ್ವೆ ನಂ. 63 ರಲ್ಲಿ 5 ಎಕರೆ ಜಾಗವನ್ನು ಒತ್ತುವರಿ ಮಾಡಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಒತ್ತುವರಿ ಮಾಡಿರುವವರ ಹೆಸರು ಮತ್ತು ವಿಳಾಸವೇನು;

(ಆ) ಬೆಂಗಳೂರು ನಗರ ಜಿಲ್ಲೆಯ ಬೆಂಗಳೂರು ದಕ್ಷಿಣ ತಾಲ್ಲೂಕಿನ ಬೇಗೂರು ಹೋಬಳಿಯ ಹುಳಿಮಾವು ಗ್ರಾಮದ ಸರ್ವೆ ನಂ. 63 ರಲ್ಲಿ 5 ಎಕರೆ ಜಾಗವನ್ನು ಒತ್ತುವರಿ ಮಾಡಿರುವುದನ್ನು ತೆರವುಗೊಳಿಸಿದ ಬಗ್ಗೆ ಆದೇಶವಾಗಿದ್ದರೂ ಸರ್ಕಾರದ ವಶಕ್ಕೆ ಪಡೆಯದಿರಲು ಕಾರಣವೇನು;

(ಇ) ಅಕ್ರಮ ಒತ್ತುವರಿಗೆ ಸಹಕರಿಸಿ ಅನಧೀಕೃತ ಕಟ್ಟಡ ನಿರ್ಮಾಣವಾಗುವವರೆಗೆ ಸಹಕರಿಸಿದ ಅಧಿಕಾರಿಗಳನ್ನು ಈ ಪ್ರಕರಣಕ್ಕೆ ಸಂಬಂಧಿಸಿದಂತೆ ಅಮಾನತ್ತುಗೊಳಿಸಿ ಶಿಕ್ಷೆಗೆ ಒಳಪಡಿಸಲಾಗಿದೆಯೇ; (ಹೆಸರು, ಹುದ್ದೆಯೊಂದಿಗೆ ವಿವರ ನೀಡುವುದು)

(ಈ) ಅಕ್ರಮ ಒತ್ತುವರಿದಾರರನ್ನು ತೆರವುಗೊಳಿಸುವ ಬಗ್ಗೆ ಸರ್ಕಾರದ ನಿಲುವೇನು; ಅಕ್ರಮ ಒತ್ತುವರಿದಾರರನ್ನು ತೆರವುಗೊಳಿಸಿ ಅಕ್ರಮ ಕಟ್ಟಡವನ್ನು ನೆಲಸಮಗೊಳಿಸಲಾಗುವುದೇ; ಈ ಅಕ್ರಮದಿಂದ ಕಾನೂನು ಸುವ್ಯವಸ್ಥೆಗೆ ತೊಂದರೆ ಉಂಟು ಮಾಡಿದವರ್ಯಾರು; ಒತ್ತುವರಿ ಜಾಗವನ್ನು ತೆರವುಗೊಳಿಸಿ ಜಾಗವನ್ನು ಸರ್ಕಾರದ ವಶಕ್ಕೆ ಪಡೆಯದ ಜಿಲ್ಲಾಧಿಕಾರಿಯವರ ಮೇಲೆ ಯಾವ ಕ್ರಮ ಕೈಗೊಳ್ಳಲಾಗಿದೆ; ಕ್ರಮ ಕೈಗೊಳ್ಳದಿರಲು ಕಾರಣವೇನು ?